ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಗುರುವಾರ, ದಿನಾಂಕ : 12 ನೇ ಮಾರ್ಚ್, 2020

ಕೊಡಗು ಜಿಲ್ಲೆಯಲ್ಲಿ ಸಂಭವಿಸಿದ ಭೂಕುಸಿತ ಹಾಗೂ ಪ್ರವಾಹದಿಂದಾಗಿ ನದಿಗಳ ಹರಿವು ಬದಲಾಗಿರುವ ಕುರಿತು

ಶ್ರೀಮತಿ ಎಸ್. ವೀಣಾ ಅಚ್ಚಯ್ಯ (ವಿಧಾನಸಭೆಯಿಂದ ಚುನಾಯಿತರಾದವರು) :-

800 (893) ಮಾನ್ಯ ಜಲಸಂಪನ್ಮೂಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಕೊಡಗು ಜಿಲ್ಲೆಯಲ್ಲಿ 2018 ಮತ್ತು 2019ರಲ್ಲಿ ಸಂಭವಿಸಿದ ಭೂಕುಸಿತ ಹಾಗೂ ಪ್ರವಾಹದಿಂದಾಗಿ ನದಿಗಳಲ್ಲಿ ಸಂಪೂರ್ಣವಾಗಿ ಹೂಳು ತುಂಬಿ ಅವುಗಳ ಹರಿವು ಬದಲಾಗಿ ರೈತರ ಜಮೀನುಗಳು ಕೊಚ್ಚಿಹೋಗಿರುವುದರಿಂದ ಅವರು ಸಂಕಷ್ಟಕ್ಕೆ ಸಿಲುಕಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಬಂದಿದ್ದಲ್ಲಿ, ನದಿಗಳಲ್ಲಿ ತುಂಬಿರುವ ಹೂಳನ್ನು ತೆಗೆದು ನೀರು ಸರಾಗವಾಗಿ ಹರಿಯಲು ಅನುವಾಗುವಂತೆ ಸರ್ಕಾರ ಇದುವರೆವಿಗೂ ಕ್ರಮ ವಹಿಸದೇ ಇರಲು ಕಾರಣಗಳೇನು;

(ಇ) ಯಾವ ಕಾಲಮಿತಿಯೊಳಗೆ ಸದರಿ ನದಿಗಳಲ್ಲಿ ತುಂಬಿರುವ ಹೂಳನ್ನು ಹೊರತೆಗೆದು ಅವುಗಳ ಸರಾಗ ಹರಿವಿಗೆ ಅವಕಾಶ ಕಲ್ಪಸಿ ಆ ಮೂಲಕ ರೈತರ ಜಮೀನುಗಳನ್ನು ರಕ್ಷಿಸಲಾಗುವುದು?